ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತಮೂರನೆಯ ಅಧಿವೇಶನ

ಗುರುವಾರ, ದಿನಾಂಕ: 4ನೇ ಫೆಬ್ರುವರಿ, 2021

ರಾಜ್ಯದ ಗ್ರಾಮೀಣಾ ಪ್ರದೇಶಗಳಲ್ಲಿ ಸುಟ್ಟುಹೋಗಿರುವ ವಿದ್ಯುತ್ ಪರಿವರ್ತಕಗಳ ಕುರಿತು

ಶ್ರೀ ಹೆಚ್.ಎಂ. ರಮೇಶ್ ಗೌಡ (ವಿಧಾನಸಭೆಯಿಂದ ಚುನಾಯಿತರಾದವರು) :-

373(413) ಮಾನ್ಯ ಮುಖ್ಯಮಂತ್ರಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದ ಗ್ರಾಮೀಣ ಪ್ರದೇಶಗಳಲ್ಲಿ ಸುಟ್ಟುಹೋಗಿರುವ ವಿದ್ಯುತ್ ಪರಿವರ್ತಕಗಳನ್ನು ಬದಲಾಯಿಸುವಲ್ಲಿ ವಿಳಂಬವಾಗುತ್ತಿರುವ ವಿಚಾರ ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ವಿದ್ಯುತ್ ಪರಿವರ್ತಕಗಳನ್ನು ಬದಲಾಯಿಸುವ ಸಮಯದಲ್ಲಿ ವಿಳಂಬದಿಂದಾಗಿ ರೈತರ ಬೆಳೆ ಹಾಳಾಗಿ ತೊಂದರೆಯಾಗುತ್ತಿರುವ ಬಗ್ಗೆ ಸರ್ಕಾರದ ಕ್ರಮವೇನು;

(ಇ) ರಾಜ್ಯದ ಗ್ರಾಮೀಣ ಪ್ರದೇಶಗಳಲ್ಲಿ ಕುಡಿಯುವ ನೀರಿಗಾಗಿ ಅಳವಡಿಸಿರುವ ವಿದ್ಯುತ್ ಪರಿವರ್ತಕಗಳು ಸುಟ್ಟುಹೋದಾಗ ಎಷ್ಟು ದಿನಗಳಲ್ಲಿ ಬದಲಾಯಿಸಲಾಗುವುದು; (ವಿವರ ನೀಡುವುದು)

(ಈ) ಕುಡಿಯುವ ನೀರಿಗೆ ಅಳವಡಿಸಿರುವ ವಿದ್ಯುತ್ ಪರಿವರ್ತಕಗಳು ಸುಟ್ಟುಹೋದರೆ ಸರ್ಕಾರದಿಂದ ತಾತ್ಕಾಲಿಕವಾಗಿ ಯಾವ ಕ್ರಮಗಳನ್ನು ಕೈಗೊಳ್ಳಲಾಗಿರುವುದು ಎಂಬುದರ ಕುರಿತು ಮಾಹಿತಿ ನೀಡುವುದು;

(ಉ) ಮುಂದೆ ಬರುವ ಬೇಸಿಗೆಯಲ್ಲಿ ಉದ್ಭವಿಸುವ ವಿದ್ಯುತ್ ಕೊರತೆ ನೀಗಿಸಲು ಇಲಾಖೆ ತೆಗೆದುಕೊಂಡಿರುವ ಕ್ರಮಗಳಾವುವು? (ಮಾಹಿತಿ ನೀಡುವುದು)